# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ರಹಿತ ಪ್ರಶ್ನೆ ಸಂಖ್ಯೆ : 131

ಸದಸ್ಯರ ಹೆಸರು : ಡಾ॥ ಚಂದ್ರಶೇಖರ್ ಬಿ ಪಾಟೀಲ್(ಪದವೀಧರರ ಕ್ಷೇತ್ರ)

ಉತ್ತರಿಸಬೇಕಾದ ದಿನಾಂಕ : 21/09/2020

ಉತ್ತರಿಸುವ ಸಚಿವರು : ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು

| ಪ್ರಶ್ನೆ | ಉತ್ತರ |
|---|---|
| (ಅ) ದೈಹಿಕ ಶಿಕ್ಷಕರು ಹಲವಾರು ವರ್ಷದಿಂದ ಎಲ್.ಆರ್. ವೈದ್ಯನಾಥನ್ ವರದಿಯನ್ನು ಜಾರಿಗೆ ತರಬೇಕೆಂದು ಒತ್ತಾಯಿಸುತ್ತಿರುವುದು ಸರ್ಕಾರ ಗಮನಕ್ಕೆ ಬಂದಿದೆಯೇ ; | ಹೌದು |
| ಆ) ಬಂದಿದ್ದಲ್ಲಿ, ವೃಂದ ಮತ್ತು ನೇಮಕಾತಿಗೆ ತಿದ್ದುಪಡಿ ತರಲು ಸರ್ಕಾರದ ನಿಲುವೇನು? | ಸರ್ಕಾರದ ಆದೇಶ ಸಂಖ್ಯೆ:ಇಡಿ 290 ಎಸ್‌ಎಲ್‌ಬಿ 2006 ದಿ:06.08.2007 ರಲ್ಲಿ ಪ್ರೋ: ವೈದ್ಯನಾಥನ್ ವರದಿಗೆ ಅನುಮೋದನೆ ನೀಡಿದ್ದು, ಸದರಿ ವರದಿಯಲ್ಲಿನ 14 ಅಂಶಗಳ ಪೈಕಿ 13 ಅಂಶಗಳನ್ನು ಜಾರಿಗೊಳಿಸಲಾಗಿದ್ದು, ಉಳಿದ 14ನೇ ಅಂಶವಾದ ದೈಹಿಕ ಶಿಕ್ಷಣ ಶಿಕ್ಷಕರುಗಳ ಪದನಾಮವನ್ನು **"ಸಹ ಶಿಕ್ಷಕರು" (ದೈಹಿಕ ಶಿಕ್ಷಣ)** ಎಂದು ಪರಿಗಣಿಸಲು ಹಾಗೂ ಸಾರ್ವಜನಿಕ ಶಿಕ್ಷಣ ಇಲಾಖೆಯ ವೃಂದ ಮತ್ತು ನೇಮಕಾತಿ ನಿಯಮಗಳನ್ನು ಸಮಗ್ರವಾಗಿ ಪರಿಷ್ಕರಣೆ ಮಾಡುವ ಬಗ್ಗೆ ಇಲಾಖಾ ಮುಖ್ಯಸ್ಥರು ಸರ್ಕಾರಕ್ಕೆ ಪ್ರಸ್ತಾವನೆ ಸಲ್ಲಿಸಿರುತ್ತಾರೆ.<br><br>ಈ ಬಗ್ಗೆ ಸರ್ಕಾರದ ಪ್ರಧಾನ ಕಾರ್ಯದರ್ಶಿಗಳು, ಪ್ರಾಥಮಿಕ ಹಾಗೂ ಪ್ರೌಢ ಶಿಕ್ಷಣ ಇವರ ಅಧ್ಯಕ್ಷತೆಯಲ್ಲಿ ದಿನಾಂಕ:24-05-2018ರಂದು ಹಾಗೂ ಸರ್ಕಾರದ ಅಪರ ಮುಖ್ಯ ಕಾರ್ಯದರ್ಶಿ, ಕರ್ನಾಟಕ ಸರ್ಕಾರ ಇವರ ಅಧ್ಯಕ್ಷತೆಯಲ್ಲಿ ದಿ:23/10/2018ರಂದು ನಡೆದ ವೃಂದ ಪರಿಶೀಲನಾ ಸಮಿತಿ ಸಭೆಯಲ್ಲಿ ಕರಡು ನಿಯಮಗಳಲ್ಲಿ ಕೆಲವೊಂದು ಅಂಶಗಳನ್ನು ಸೇರ್ಪಡೆಗೊಳಿಸಲು ಹಾಗೂ ಕೆಲವು ಅಂಶಗಳನ್ನು ಕೈಬಿಡಲು ನಿರ್ಣಯಿಸಿ, ಕರಡು ತಿದ್ದುಪಡಿ ನಿಯಮಗಳನ್ನು ಅನುಮೋದಿಸಿರುತ್ತಾರೆ.<br><br>ಸಾರ್ವಜನಿಕ ಶಿಕ್ಷಣ ಇಲಾಖೆಯ ವೃಂದ ಮತ್ತು ನೇಮಕಾತಿ ನಿಯಮಗಳ ಸಮಗ್ರ ಪರಿಷ್ಕರಣಾ ತಿದ್ದುಪಡಿ ನಿಯಮಗಳ ಕುರಿತಂತೆ ಆರ್ಥಿಕ ಇಲಾಖೆ, ಸಿಆಸು ಇಲಾಖೆ ಹಾಗೂ ಸಂಸದೀಯ ವ್ಯವಹಾರಗಳ ಇಲಾಖೆಗಳೊಂದಿಗೆ ಸಮಾಲೋಚಿಸಲಾಗಿದ್ದು, ಆರ್ಥಿಕ ಇಲಾಖೆಯು ಕೆಲವು ಮಾಹಿತಿ ಒದಗಿಸುವಂತೆ ಕೋರಿದೆ. ಸಿಬ್ಬಂದಿ ಆಡಳಿತ ಸುಧಾರಣೆ ಇಲಾಖೆ ಮತ್ತು ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆಗಳು ಕೆಲವು ಅಂಶಗಳ ಬಗ್ಗೆ ಸಲಹೆ/ ಅಭಿಪ್ರಾಯ ನೀಡಿವೆ. |

| | |
|---|---|
| | ಈ ಕುರಿತಂತೆ ದಿನಾಂಕ: 17.06.2020ರಂದು ಸರ್ಕಾರದ ಪ್ರಧಾನ ಕಾರ್ಯದರ್ಶಿ, ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಇಲಾಖೆ ರವರ ಅಧ್ಯಕ್ಷತೆಯಲ್ಲಿ ಸಾರ್ವಜನಿಕ ಶಿಕ್ಷಣ ಇಲಾಖೆಯ ಆಯುಕ್ತರು ಮತ್ತು ಇತರ ಅಧಿಕಾರಗಳೊಂದಿಗೆ ಸಭೆ ನಡೆಸಲಾಗಿದೆ. ಸದರಿ ಸಭೆಯಲ್ಲಿ, ಆರ್ಥಿಕ ಇಲಾಖೆಯು ಕೋರಿರುವ ಮಾಹಿತಿಯನ್ನು ಒದಗಿಸಲು ಮತ್ತು ಸಿಬ್ಬಂದಿ ಆಡಳಿತ ಸುಧಾರಣೆ ಇಲಾಖೆಯು ನೀಡಿರುವ ಸಲಹೆಗಳನ್ನು ಅಳವಡಿಸಿಕೊಂಡು ಪರಿಷ್ಕೃತ ಕರಡು ನಿಯಮಗಳನ್ನು ಸಿದ್ದಪಡಿಸಿ, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆಯ ಪರಿಶೋಧನೆಗೆ ಕಳುಹಿಸಲು ನಿರ್ಣಯಿಸಲಾಗಿದೆ. ಅದರಂತೆ ಆರ್ಥಿಕ ಇಲಾಖೆಗೆ ಮಾಹಿತಿ ಒದಗಿಸುವ ಬಗ್ಗೆ ಮಾಹಿತಿಗಳನ್ನು ಕ್ರೋಢೀಕರಿಸಲು ಮತ್ತು ಪರಿಷ್ಕೃತ ಕರಡು ನಿಯಮಗಳನ್ನು ಸಿದ್ದಪಡಿಸಲು ಕ್ರಮವಹಿಸಲಾಗುತ್ತಿದೆ. |

**ಸಂಖೆ:ಇಪಿ 67 ಡಿಎಆರ್ 2020.**

(ಎಸ್. ಸುರೇಶ್ ಕುಮಾರ್)
ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು